ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಖಾಸಗಿ ಮಾಲೀಕತ್ವದ ಜಾಗಗಳಿಲ್ಲಿರುವ ಕೊಳಗೇರಿಗಳ ಬಗ್ಗೆ

ಶ್ರೀ ಮಾನೆ ಶ್ರೀನಿವಾಸ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)-

250 (257) ಮಾನ್ಯ ವಸತಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಹಾವೇರಿ, ಧಾರವಾಡ ಹಾಗೂ ಗದಗ ಜಿಲ್ಲೆಗಳಲ್ಲಿ ಖಾಸಗಿ ಮಾಲೀಕತ್ವದ ಜಾಗಗಳಲ್ಲಿರುವ ಕೊಳಗೇರಿ ಪ್ರದೇಶಗಳ ಸಂಖ್ಯೆ ಎಷ್ಟು;

(ಆ) ಸದರಿ ಜಿಲ್ಲೆಗಳಲ್ಲಿ ಖಾಸಗಿ ಮಾಲೀಕತ್ವದ ಜಾಗಗಳಲ್ಲಿ ವಾಸಿಸುತ್ತಿರುವ ಒಟ್ಟು ಕೊಳಚೆ ಪ್ರದೇಶಗಳ ನಿವಾಸಿ ಕುಟುಂಬಗಳು ಹಾಗೂ ಜನ ಸಂಖ್ಯೆ ಎಷ್ಟು;

(ಇ) ಸದರಿ ಜಿಲ್ಲೆಗಳಲ್ಲಿ ಖಾಸಗಿ ಮಾಲೀಕತ್ವದ ಜಾಗಗಳನ್ನು ಕೊಳಗೇರಿ ಪ್ರದೇಶ ಅಭಿವೃದ್ಧಿ ಮಂಡಳಿಯ ವಶಕ್ಕೆ ಪಡೆದುಕೊಳ್ಳುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ;

(ಈ) ಹಾವೇರಿ, ಧಾರವಾಡ ಹಾಗೂ ಗದಗ ಜಿಲ್ಲೆಗಳಲ್ಲಿ ಖಾಸಗಿ ಮಾಲೀಕತ್ವದ ಜಾಗಗಳನ್ನು ಕೊಳಗೇರಿ ಪ್ರದೇಶ ಅಭಿವೃದ್ಧಿ ಮಂಡಳಿಯ ವಶಕ್ಕೆ ಪಡೆದುಕೊಂಡು ಸದರಿ ಜಾಗಗಳಲ್ಲಿ ವಾಸವಿರುವ ನಿವಾಸಿಗಳಿಗೆ ಕ್ರಯಪತ್ರ/ಹಕ್ಕುಪತ್ರ ನೀಡಲು ಸರ್ಕಾರ ಮುಂದಾಗುವುದೇ; ಹಾಗಿದ್ದಲ್ಲಿ, ಇದಕ್ಕೆ ಬೇಕಾಗುವ ಕಾಲಾವಕಾಶವೆಷ್ಟು?